ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೊಂದನೆಯ ಅಧಿವೇಶನ

ಶುಕ್ರವಾರ, ದಿನಾಂಕ: 25ನೇ ಸೆಪ್ಟಂಬರ್, 2020

ರಾಜ್ಯದಲ್ಲಿ ವಾಯುಮಾಲಿನ್ಯ ತಡೆಗಟ್ಟಲು ಎಲೆಕ್ಟ್ರಿಕ್ ಬಸ್‌ಗಳ ಖರೀದಿ ಬಗ್ಗೆ

ಶ್ರೀ ಆರ್. ಪ್ರಸನ್ನ ಕುಮಾರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

674 (756) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ವಾಯು ಮಾಲಿನ್ಯ ತಡೆಗಟ್ಟುವ ದೃಷ್ಟಿಯಿಂದ ಈ ಹಿಂದೆ ಎಲೆಕ್ಟ್ರಿಕ್ ಬಸ್‌ಗಳನ್ನು ಕೆ.ಎಸ್.ಆರ್.ಟಿ.ಸಿ./ಬಿ.ಎಂ.ಟಿ.ಸಿ.ಗೆ ಗುತ್ತಿಗೆ ಆಧಾರದ ಮೇಲೆ ಅಥವಾ ಖರೀದಿಗೆ ತೆಗೆದುಕೊಳ್ಳಲು ಸರ್ಕಾರ ತೀರ್ಮಾನ ಕೈಗೊಂಡಿದೆಯೇ ;

(ಆ) ಹಾಗಿದ್ದಲ್ಲಿ, ಈ ಪ್ರಸ್ತಾವನೆ ಯಾವ ಹಂತದಲ್ಲಿದೆ ; ವಿಳಂಬವಾಗಲು ಕಾರಣಗಳೇನು ;

(ಇ) ಎಲೆಕ್ಟ್ರಿಕ್ ಬಸ್‌ಗಳಿಗೆ ಕೇಂದ್ರ ಸರ್ಕಾರ ಸಹಾಯಧನ ನೀಡಿದ್ದರೂ ಸಹ ಈ ಯೋಜನೆಯನ್ನು ಬಳಸಿಕೊಳ್ಳದೆ ವಿಳಂಬ ಧೋರಣೆಯಿಂದ ಕೇಂದ್ರ ಸರ್ಕಾರದ ಸಹಾಯಧನ ನಿಂತುಹೋಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಈ) ಈ ವಿಳಂಬ ಧೋರಣೆಗೆ ಕಾರಣರಾದ ಅಧಿಕಾರಿಗಳು ಯಾರು; ಆ ಅಧಿಕಾರಿಗಳ ಮೇಲೆ ಸರ್ಕಾರ ಕೈಗೊಂಡ ಕ್ರಮಗಳೇನು ?